ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಸ್ಥಳೀಯ ಶಾಸಕರ ಪ್ರದೇಶಾಭಿವೃದ್ಧಿ ನಿಧಿಯ ಬಿಡುಗಡೆ ಕುರಿತು

ಶ್ರೀ ಪಿ.ಆರ್.ರಮೇಶ್ (ನಾಮನಿರ್ದೇಶನ) :-

383 (442) ಮಾನ್ಯ ಯುವ ಸಬಲೀಕರಣ ಮತ್ತು ಕ್ರೀಡೆ ಹಾಗೂ ಯೋಜನಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) 2019-2020ರ ಸ್ಥಳೀಯ ಶಾಸಕರ ಪ್ರದೇಶಾಭಿವೃದ್ಧಿ ನಿಧಿಯ ಅನುದಾನದಲ್ಲಿ ನಿಯಮದಂತೆ ರೂ.2 ಕೋಟಿ ಬಿಡುಗಡೆ ಆಗಬೇಕಾಗಿದ್ದು, ಕೇವಲ ರೂ.50 ಲಕ್ಷಗಳು ಮಾತ್ರ ಬಿಡುಗಡೆ ಆಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ವಿವರ ನೀಡುವುದು)

(ಆ) ಸದರಿ ಬಾಕಿ ಅನುದಾನ ಬಿಡುಗಡೆಯ ವಿಳಂಬತೆಯಿಂದ ಹಲವು ಸಾರ್ವಜನಿಕ ಕಾಮಗಾರಿಗಳ ಪ್ರಗತಿ ಕುಂಠಿತವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ವಿಳಂಬ ತಪ್ಪಿಸಲು ಸರ್ಕಾರದ ಕ್ರಮವೇನು; (ವಿವರ ನೀಡುವುದು)

(ಇ) 2019-2020ರ ಸ್ಥಳೀಯ ಶಾಸಕರ ಪ್ರದೇಶಾಭಿವೃದ್ಧಿ ನಿಧಿಯಲ್ಲಿನ ಪೂರ್ಣ ಅನುದಾನ ಬಿಡುಗಡೆಯಾಗದೇ ಇರುವುದಕ್ಕೆ ಕಾರಣಗಳೇನು ಮತ್ತು ಬಾಕಿ ಉಳಿದಿರುವ ಅನುದಾನದ ಬಿಡುಗಡೆಗೆ ಸರ್ಕಾರದ ಕ್ರಮಗಳೇನು? (ವಿವರ ನೀಡುವುದು)